ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 23ನೇ ಮಾರ್ಚ್, 2020

ವಿದೇಶ ವಿದ್ಯಾರ್ಥಿಗಳ ಕುರಿತು

ಶ್ರೀ ಎನ್. ರವಿಕುಮಾರ್ (ವಿಧಾನಸಭೆಯಿಂದಚುನಾಯಿತರಾದವರು):-

1500 (1673) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದ ಎಷ್ಟು ಶಿಕ್ಷಣ ಸಂಸ್ಥೆಗಳಲ್ಲಿ ಅನ್ಯ ದೇಶದ ವಿದ್ಯಾರ್ಥಿಗಳು ವಿದ್ಯಾಭ್ಯಾಸ ಮಾಡುತ್ತಿದ್ದಾರೆ ; ಶಿಕ್ಷಣ ಸಂಸ್ಥೆಯ ಹೆಸರಿನೊಂದಿಗೆ ಜಿಲ್ಲಾವಾರು ವಿವರ ನೀಡುವುದು ;

(ಆ) ವಿದೇಶಿ ವಿದ್ಯಾರ್ಥಿಗಳು ರಾಜ್ಯದ ಶಿಕ್ಷಣ ಸಂಸ್ಥೆಗಳಲ್ಲಿ ಪ್ರವೇಶ ಪಡೆಯಲು ಇರುವ ನಿಯಮಗಳೇನು ; ಎಷ್ಟು ದೇಶದ ವಿದ್ಯಾರ್ಥಿಗಳು ರಾಜ್ಯದಲ್ಲಿದ್ದಾರೆ ; (ದೇಶವಾರು ವಿವರ ನೀಡುವುದು)

(ಇ) ವೀಸಾ ಅವಧಿ ಮುಗಿದ ಮೇಲೂ ವಿದೇಶಿ ವಿದ್ಯಾರ್ಥಿಗಳನ್ನು ಸಂಬಂಧಿಸಿದ ಶಿಕ್ಷಣ ಸಂಸ್ಥೆಗಳು ವಿದ್ಯಾಭ್ಯಾಸ ಮುಂದುವರೆಸಲು ಅನುಮತಿ ನೀಡುತ್ತಿವೆಯೇ ; ಯಾವ ನಿಯಮದ ಅನ್ವಯ ವೀಸಾ ಇಲ್ಲದಿದ್ದರೂ ಶಿಕ್ಷಣ ಸಂಸ್ಥೆಗಳು ಪ್ರವೇಶಾತಿ ನೀಡುತ್ತಿವೆ;

(ಈ) ವೀಸಾ ಅವಧಿ ಮುಗಿದ ವಿದ್ಯಾರ್ಥಿಗಳ ಕುರಿತು ಶಿಕ್ಷಣ ಸಂಸ್ಥೆಗಳು ಸರ್ಕಾರಕ್ಕೆ ಮಾಹಿತಿ ನೀಡುತ್ತವೆಯೇ ; ನೀಡದೇ ಇರುವ ಶಿಕ್ಷಣ ಸಂಸ್ಥೆಗಳ ವಿರುದ್ಧ ಸರ್ಕಾರ ಯಾವ ಕ್ರಮ ಕೈಗೊಂಡಿದೆ ?